# ಕರ್ನಾಟಕ ವಿಧಾನ ಪರಿಷತ್ತು

| | | |
|---|---|---|
| ಚುಕ್ಕೆ ರಹಿತ ಪ್ರಶ್ನೆ ಸಂಖ್ಯೆ | : | 1050 |
| ಸದಸ್ಯರ ಹೆಸರು | : | ಶ್ರೀ ಯು.ಬಿ. ವೆಂಕಟೇಶ್ (ನಾಮನಿರ್ದೇಶನ ಹೊಂದಿದವರು) |
| ಉತ್ತರಿಸುವ ದಿನಾಂಕ | : | 22.12.2021 |
| ಉತ್ತರಿಸುವ ಸಚಿವರು | : | ಲೋಕೋಪಯೋಗಿ ಸಚಿವರು |

| | ಪ್ರಶ್ನೆಗಳು | ಉತ್ತರಗಳು |
|---|---|---|
| ಅ) | ಇತ್ತೀಚೆಗೆ ಸುರಿದ ಮಳೆಯಿಂದಾಗಿ ರಾಜ್ಯದ ರಸ್ತೆಗಳು, ಸೇತುವೆಗಳು ಹಾಳಾಗಿ ಜನರ ಸುಗಮ ಸಂಚಾರಕ್ಕೆ ಅನಾನುಕೂಲವಾಗಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; | ಸರ್ಕಾರದ ಗಮನಕ್ಕೆ ಬಂದಿರುತ್ತದೆ. |
| ಆ) | ಬಂದಿದ್ದಲ್ಲಿ, ಈ ರಸ್ತೆ ಸೇತುವೆಗಳನ್ನು ದುರಸ್ತಿಗೊಳಿಸಲು ಸರ್ಕಾರ ಕ್ರಮ ಕೈಗೊಂಡಿದೆಯೇ; | ಇತ್ತೀಚೆಗೆ ಸುರಿದ ಮಳೆಯಿಂದಾಗಿ ಹಾಳಾದ ರಾಜ್ಯದ ರಸ್ತೆಗಳು ಹಾಗೂ ಸೇತುವೆಗಳ ದುರಸ್ತಿಗಾಗಿ ವಲಯವಾರು ಈ ಕೆಳಕಂಡಂತೆ ಅನುದಾನ ಹಂಚಿಕೆ ಮಾಡಲಾಗಿರುತ್ತದೆ. |

| ಕ್ರ. ಸಂ | ವಲಯ | ಅನುದಾನ (ರೂ.ಕೋಟಿಗಳಲ್ಲಿ) |
|---|---|---|
| 1 | ಉತ್ತರ ವಲಯ | 229.00 |
| 2 | ದಕ್ಷಿಣ ವಲಯ | 17.00 |
| 3 | ಈಶಾನ್ಯ ವಲಯ | 15.00 |
| 4 | ಕೇಂದ್ರ ವಲಯ | 39.00 |
| 5 | ರಾಷ್ಟ್ರೀಯ ಹೆದ್ದಾರಿ ವಲಯ | 10.00 |
| | ಒಟ್ಟು | 310.00 |

ಭಾರಿ ಮಳೆಯಿಂದ ಹಾಳಾದ ರಸ್ತೆ ಮತ್ತು ಸೇತುವೆಗಳ ದುರಸ್ತಿಗಾಗಿ ನಾಲ್ಕು ವಲಯಗಳಿಗೆ ರೂ.310.00 ಕೋಟಿ ಹಂಚಿಕೆ ಮಾಡಲಾಗಿದ್ದು, ಈ ಮೊತ್ತದಲ್ಲಿ ದುರಸ್ತಿ ಮತ್ತು ಪುನರ್ ನಿರ್ಮಾಣ ಕಾಮಗಾರಿಯನ್ನು ಕೈಗೊಳ್ಳಲು ಕ್ರಿಯಾಯೋಜನೆಯನ್ನು ತಯಾರಿಸಲಾಗುತ್ತಿದೆ. ರಾಷ್ಟ್ರೀಯ ಹೆದ್ದಾರಿ ವಲಯಕ್ಕೆ ಸಂಬಂಧಿಸಿದಂತೆ ನೀಡಲಾದ ರೂ.10.00 ಕೋಟಿ ಅನುದಾನದಲ್ಲಿ ಕ್ರಿಯಾ ಯೋಜನೆಯನ್ನು ತಯಾರಿಸಿ ಕಾಮಗಾರಿಯನ್ನು ಪೂರ್ಣಗೊಳಿಸಲಾಗಿದೆ.

ಮುಂದುವರೆದು, ಜುಲೈ ಹಾಗೂ ಆಗಸ್ಟ್ ಮಾಹೆಯಲ್ಲಿ ಉಂಟಾದ ಅತಿವೃಷ್ಟಿಯಿಂದಾಗಿ ರಾಷ್ಟ್ರೀಯ ಹೆದ್ದಾರಿಗೆ ಸಂಬಂಧಿಸಿದಂತೆ

| ಪ್ರಶ್ನೆಗಳು | | ಉತ್ತರಗಳು |
| --- | --- | --- |
| | | ಹಾನಿಗೊಳಗಾದ ರಸ್ತೆ ಮತ್ತು ಸೇತುವೆಗಳ ದುರಸ್ಥಿ ಹಾಗೂ ಪುನರ್ ನಿರ್ಮಾಣಗಳ ಬಗ್ಗೆ ರೂ.17.149 ಕೋಟಿ ಹಾಗೂ ರೂ.214.17 ಕೋಟಿ ಮೊತ್ತಕ್ಕೆ ತಾತ್ಕಾಲಿಕ ಹಾಗೂ ಶಾಶ್ವತ ದುರಸ್ತಿಗಾಗಿ ಕ್ರಿಯಾ ಯೋಜನೆಯನ್ನು ತಯಾರಿಸಿ ಅನುಮೋದನೆಗಾಗಿ ಕೇಂದ್ರ ಭೂಸಾರಿಗೆ ಮಂತ್ರಾಲಯಕ್ಕೆ ದಿನಾಂಕ:05.10.2021 ರಂದು ಸಲ್ಲಿಸಲಾಗಿರುತ್ತದೆ.<br>ಕೇಂದ್ರ ಭೂಸಾರಿಗೆ ಮಂತ್ರಾಲಯದಿಂದ ರೂ.8.00 ಕೋಟಿಗಳ ಅನುದಾನ ಎಫ್‌ಡಿಆರ್ ಯೋಜನೆಯಡಿ ಒದಗಿಸಲಾಗಿದ್ದು, ಕಾಮಗಾರಿಯನ್ನು ಕೈಗೊಳ್ಳಲು ಅಂದಾಜು ಪಟ್ಟಿಗಳನ್ನು ತಯಾರಿಸಿ ಅನುಮೋದನೆಗಾಗಿ ಕೇಂದ್ರ ಭೂಸಾರಿಗೆ ಮಂತ್ರಾಲಯಕ್ಕೆ ಸಲ್ಲಿಸಿದೆ. |

ಲೋಇ 124 ಸಿಕ್ಯೂಎನ್ 2021(ಇ)

(ಸಿ.ಸಿ. ಪಾಟೀಲ)
ಲೋಕೋಪಯೋಗಿ ಸಚಿವರು